ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಶುದ್ಧ ನೀರಿನ ಘಟಕವನ್ನು ಸರಿಯಾಗಿ ನಿರ್ವಹಣೆ ಮಾಡದೆ ಇರುವ ಬಗ್ಗೆ

ಶ್ರೀ ಘೋಟ್ನೆಕರ ಶ್ರೀಕಾಂತ ಲಕ್ಷ್ಮಣ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1394 (1574) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳ ನ್ನು ದಯವಿಟ್ಟು ತಿಳಿಸುವರೆ:-

(ಅ) ಕಾರವಾರ ಜಿಲ್ಲೆಯಲ್ಲಿ ಪ್ರಾರಂಭದಿಂದ ಇದುವರೆವಿಗೂ ಎಷ್ಟು ಶುದ್ಧ ಕುಡಿಯುವ ನೀರಿನ ಘಟಕಗಳನ್ನು ನಿರ್ಮಾಣ ಮಾಡಲಾಗಿದೆ ; (ಜಿಲ್ಲಾವಾರು ಸಂಪೂರ್ಣ ವಿವರ ನೀಡುವುದು)

(ಆ) ಶುದ್ಧ ಕುಡಿಯುವ ನೀರಿನ ಘಟಕಗಳ ನಿರ್ಮಾಣಕ್ಕೆ ಸರ್ಕಾರ ಇದುವರೆಗೂ ಮಾಡಿರುವ ಖರ್ಚು ಎಷ್ಟು; (ಮಾಹಿತಿ ನೀಡುವುದು)

(ಇ) ಸಾವಿರಾರು ಕೋಟಿ ರೂಪಾಯಿ ಖರ್ಚು ಮಾಡಿ ಶುದ್ಧ ನೀರಿನ ಘಟಕಗಳನ್ನು ನಿರ್ಮಾಣ ಮಾಡಿದಾಗ ಅವುಗಳು ಸರಿಯಾಗಿ ಕಾರ್ಯನಿರ್ವಹಿಸದೇ ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು;

(ಈ) ಶುದ್ಧ ನೀರಿನ ಘಟಕಗಳನ್ನು ವ್ಯವಸ್ಥಿತವಾಗಿ ನಿರ್ವಹಿಸದಿರುವುದಕ್ಕೆ ಕಾರಣರಾದವರ ವಿರುದ್ಧ ಸರ್ಕಾರ ಯಾವ ಕ್ರಮಕೈಗೊಂಡಿದೆ; (ವಿವರ ನೀಡುವುದು)

(ಉ) ಶುದ್ಧ ನೀರಿನ ಘಟಕಗಳು ಸ್ಥಾಪನೆಯಾದ ದಿನದಿಂದ ಇದುವರೆಗೂ ಕಾರ್ಯಾರಂಭ ಮಾಡದೇ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ರಾಜ್ಯಾದ್ಯಂತ ಈ ರೀತಿ ಕಾರ್ಯಾರಂಭ ಮಾಡದಿರುವ ಘಟಕಗಳ ಸಂಖ್ಯೆ ಎಷ್ಟು? (ಜಿಲ್ಲಾವಾರು ಸಂಪೂರ್ಣ ಮಾಹಿತಿ ನೀಡುವುದು)